ಲಿಖಿತ ಮೂಲಕ ಉತ್ತರಿಸುವ ಪ್ರಶ್ನೆ



ಕರ್ನಾಟಕ ವಿಧಾನ ಪರಿಷತ್ತು
ನೂರ ನಲವತ್ತಮೂರನೆಯ ಅಧಿವೇಶನ
ಶುಕ್ರವಾರ, ದಿನಾಂಕ : 05 ನೇ ಫೆಬ್ರುವರಿ, 2021

ವಿಶೇಷ ಚೇತನರಿಗೆ ಮೀಸಲಾತಿ ಸೌಲಭ್ಯ ಕಲ್ಪಿಸುವ ಬಗ್ಗೆ

ಶ್ರೀ  ಮರಿತಿಬ್ಬೇಗೌಡ(ಶಿಕ್ಷಕರ ಕ್ಷೇತ್ರ) -

432 (517) ಮಾನ್ಯ ಮಹಿಳಾ ಮತ್ತು ಮಕ್ಕಳ ಅಭಿವೃದ್ಧಿ ಹಾಗೂ ವಿಕಲಚೇತನರ ಮತ್ತು ಹಿರಿಯ ನಾಗರಿಕರ ಸಬಲೀಕರಣ ಸಚಿವರು ಈ ವಿಷಯಗಳನ್ನು ದಯವಿಟ್ಟು ತಿಳಿಸುವರೆ -

(ಅ) ಸರ್ಕಾರಿ ಹಾಗೂ ಅರೆ ಸರ್ಕಾರಿ ಸಂಸ್ಥೆಗಳಲ್ಲಿ ಉದ್ಯೋಗ ನೀಡುವಲ್ಲಿ ವಿಶೇಷ ಚೇತನರಿಗೆ ಮೀಸಲಾತಿ ಕಲ್ಪಿಸುವ ಸಂಬಂಧ ಸುಪ್ರೀಂ ಕೋರ್ಟಿನಿಂದ ತೀರ್ಪು ಬಂದಿರುವುದು ಸರ್ಕಾರದ ಗಮನಕ್ಕೆ ಬಂದಿದೆಯೇ;

(ಆ) ಬಂದಿದ್ದಲ್ಲಿ, ಸದರಿ ತೀರ್ಪಿನಲ್ಲಿ ಇರುವ ಮುಖ್ಯಾಂಶಗಳೇನು; (ವಿವರ ನೀಡುವುದು)

(ಇ) ಸದರಿ ಸುಪ್ರೀಂ ಕೋರ್ಟಿನ ತೀರ್ಪಿನ ಅನ್ವಯ ಇದುವರೆವಿಗೂ ಕೈಗೊಂಡ ಕ್ರಮಗಳೇನು?